# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)
ಎಂಟನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಗುರುವಾರ, ದಿನಾಂಕ 10ನೇ ಡಿಸೆಂಬರ್, 2020
(ಸಮಯ: ಬೆಳಿಗ್ಗೆ 10.30 ಗಂಟೆಗೆ)

----

### 1. ಶಾಸನ ರಚನೆ

**ವಿಧೇಯಕವನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು**

**ಶ್ರೀ ಬಿ.ಎಸ್. ಯಡಿಯೂರಪ್ಪ (ಮಾನ್ಯ ಮುಖ್ಯಮಂತ್ರಿಗಳು) ಅವರು:-**

ಅ) ಕರ್ನಾಟಕ ವಿಧಾನಮಂಡಲದ ಜಂಟಿ ಪರಿಶೀಲನಾ ಸಮಿತಿಯು ಶಿಫಾರಸ್ಸು ಮಾಡಿರುವಂತೆ 2020ನೇ ಸಾಲಿನ ಬೃಹತ್ ಬೆಂಗಳೂರು ಮಹಾನಗರ ಪಾಲಿಕೆ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

### 2. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ನಾಲ್ಕನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ನಾಲ್ಕನೇ ಪಟ್ಟಿ

### 3. ಸಭೆಯ ಮುಂದಿಡಲಾಗುವ ಕಾಗದ ಪತ್ರಗಳು

ಮಾನ್ಯ ಸದಸ್ಯರುಗಳಿಗೆ ಪ್ರತ್ಯೇಕವಾಗಿ ಕಳುಹಿಸಲಾಗಿರುವ ಮೂರನೇ ಪಟ್ಟಿಯ ರೀತ್ಯಾ.

.. 2/ ..

## 4. ವರದಿಗಳನ್ನೊಪ್ಪಿಸುವುದು

1) **ಶ್ರೀ ಆನಂದ್ ಅಲಿಯಾಸ್ ವಿಶ್ವನಾಥ್ ಚಂದ್ರಶೇಖರ ಮಾಮನಿ** (ಮಾನ್ಯ ಉಪ ಸಭಾಧ್ಯಕ್ಷರು ಹಾಗೂ ಅಧ್ಯಕ್ಷರು, ಖಾಸಗಿ ಸದಸ್ಯರುಗಳ ವಿಧೇಯಕ ಹಾಗೂ ನಿರ್ಣಯಗಳ ಸಮಿತಿ) ಅವರು 2020–21ನೇ ಸಾಲಿನ ಕರ್ನಾಟಕ ಖಾಸಗಿ ಸದಸ್ಯರುಗಳ ವಿಧೇಯಕ ಹಾಗೂ ನಿರ್ಣಯಗಳ ಸಮಿತಿಯ ಮೊದಲನೇ ವರದಿಯನ್ನೊಪ್ಪಿಸುವುದು.

2) **ಶ್ರೀ ಸಾ.ರಾ. ಮಹೇಶ್** (ಅಧ್ಯಕ್ಷರು, ಸಭೆಯ ಮುಂದಿಡಲಾದ ಕಾಗದ ಪತ್ರಗಳ ಸಮಿತಿ) ಅವರು 2019–20ನೇ ಸಾಲಿನ ಕರ್ನಾಟಕ ವಿಧಾನಮಂಡಲದ ಮುಂದಿಡಲಾದ ಕಾಗದ ಪತ್ರಗಳ ಸಮಿತಿಯ 36ನೇ ವರದಿಯನ್ನೊಪ್ಪಿಸುವುದು ಹಾಗೂ ವರದಿಯ ಬಗ್ಗೆ ಹೇಳಿಕೆ.

3) ದಿನಾಂಕ:09.12.2020 ರಂದು ಒಪ್ಪಿಸಲಾಗಿರುವ 2019–20 ಮತ್ತು 2020–21ನೇ ಸಾಲಿನ ಕರ್ನಾಟಕ ವಿಧಾನಮಂಡಲದ ಅಧೀನ ಶಾಸನ ರಚನಾ ಸಮಿತಿಯ 49ನೇ ವರದಿಯ ಮೇಲೆ ಸಮಿತಿಯ ಅಧ್ಯಕ್ಷರಾದ ಶ್ರೀ ಎಸ್. ಕುಮಾರ್ ಬಂಗಾರಪ್ಪ ಅವರಿಂದ ಹೇಳಿಕೆ.

## 5. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯಗಳ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1) **ಶ್ರೀಯುತರುಗಳಾದ ಸಿದ್ದರಾಮಯ್ಯ, ಡಾ: ಜಿ. ಪರಮೇಶ್ವರ್, ಕೃಷ್ಣ ಬೈರೇಗೌಡ, ಈಶ್ವರ ಖಂಡ್ರೆ, ಪ್ರಿಯಾಂಕ್ ಖರ್ಗೆ, ತನ್ವೀರ್ ಸೇಠ್ ಹಾಗೂ ಇತರರು** – ರಾಜ್ಯದಲ್ಲಿ ಇತ್ತೀಚೆಗೆ ಸಂಭವಿಸಿದ ನೆರೆಹಾವಳಿಯಿಂದ ಸಂಕಷ್ಟಕ್ಕೊಳಗಾಗಿರುವವರಿಗೆ ಪರಿಹಾರ ನೀಡುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ನಡೆದ ಚರ್ಚೆಗೆ ಸರ್ಕಾರದ ಉತ್ತರ.

2) **ಶ್ರೀಯುತರುಗಳಾದ ವಿ. ಸುನಿಲ್ ಕುಮಾರ್, ಲಾಲಾಜಿ ಆರ್. ಮೆಂಡನ್ ಹಾಗೂ ಸಂಜೀವ್ ಮಠಂದೂರು ಅವರುಗಳು** – ದಕ್ಷಿಣ ಕನ್ನಡ ಮತ್ತು ಉಡುಪಿ ಜಿಲ್ಲೆಗಳಲ್ಲಿ ಸಂಗ್ರಹಣೆ ಕೊರತೆಯಿಂದಾಗಿ ನೀರು ಪೋಲಾಗುತ್ತಿರುವುದನ್ನು ತಡೆಗಟ್ಟಲು ಪಶ್ಚಿಮ ವಾಹಿನಿ ಯೋಜನೆಯನ್ನು ಅನುಷ್ಠಾನಗೊಳಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

3) **ಶ್ರೀಯುತರುಗಳಾದ ಕೆ.ಎಸ್. ಲಿಂಗೇಶ್, ಹೆಚ್.ಕೆ. ಕುಮಾರಸ್ವಾಮಿ ಮತ್ತು ಆರ್. ಮಂಜುನಾಥ್ ಅವರುಗಳು** – ಹೇಮಾವತಿ/ಯಗಚಿ/ವಾಟೆಹೊಳೆ ಜಲಾಶಯ ನಿರ್ಮಾಣಕ್ಕಾಗಿ ಜಮೀನು ಕಳೆದುಕೊಂಡ ಸಂತ್ರಸ್ತರಿಗೆ ಜಮೀನು ಮಂಜೂರು ಮಾಡುವ ವಿಚಾರದಲ್ಲಿ ಅಧಿಕಾರ ದುರ್ಬಳಕೆ ಮಾಡಿಕೊಂಡಿರುವ ಅಧಿಕಾರಿ/ನೌಕರರ ವಿರುದ್ಧ ಶಿಸ್ತು ಕ್ರಮ ಜರುಗಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

4) **ಡಾ: ಕೆ. ಅನ್ನದಾನಿ, ಶ್ರೀಯುತರುಗಳಾದ ಹೆಚ್.ಡಿ. ರೇವಣ್ಣ ಕೆ.ಎಸ್. ಲಿಂಗೇಶ್, ಎ.ಟಿ. ರಾಮಸ್ವಾಮಿ ಆರ್. ಮಂಜುನಾಥ್ ಹಾಗೂ ಇತರರು** – ಕರ್ನಾಟಕ ರಾಜ್ಯ ಸಹಕಾರಿ ಅಪೆಕ್ಸ್ ಬ್ಯಾಂಕ್‌ನಲ್ಲಿ ನಡೆದಿರುವ ಅವ್ಯವಹಾರಗಳ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

5) **ಶ್ರೀಯುತರುಗಳಾದ ಎನ್. ಮಹೇಶ್, ಎಂ.ಪಿ ಕುಮಾರಸ್ವಾಮಿ ಮತ್ತು ಡಾ: ಕೆ. ಅನ್ನದಾನಿ ಅವರುಗಳು** – ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ವರ್ಗದವರಿಗೆ ಭೂ ಮಂಜೂರಾತಿ ಮಾಡುವುದಕ್ಕೆ ಸಂಬಂಧಿಸಿದ ಕಾಯ್ದೆಗೆ ಅಗತ್ಯ ತಿದ್ದುಪಡಿ ಮಾಡುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

6) **ಶ್ರೀಯುತರುಗಳಾದ ಎನ್. ಮಹೇಶ್, ಎಂ.ಪಿ ಕುಮಾರಸ್ವಾಮಿ ಮತ್ತು ಡಾ: ಕೆ. ಅನ್ನದಾನಿ ಅವರುಗಳು** – ಕಂದಾಯ ಇಲಾಖೆಯಲ್ಲಿ ಕಾರ್ಯನಿರ್ವಹಿಸುತ್ತಿರುವ ಗ್ರಾಮ ಸಹಾಯಕರುಗಳನ್ನು ಖಾಯಂಗೊಳಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

7) **ಶ್ರೀಯುತರುಗಳಾದ ಎನ್. ಮಹೇಶ್, ಎಂ.ಪಿ ಕುಮಾರಸ್ವಾಮಿ ಮತ್ತು ಡಾ: ಕೆ. ಅನ್ನದಾನಿ ಅವರುಗಳು** – ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ವರ್ಗದ ವಿದ್ಯಾರ್ಥಿಗಳು ವಿದ್ಯಾರ್ಥಿ ವೇತನವಿಲ್ಲದೆ ಉನ್ನತ ಶಿಕ್ಷಣದಿಂದ ವಂಚಿತರಾಗುತ್ತಿರುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

... 4/ ..

## 6. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಎಂ.ಪಿ. ಕುಮಾರಸ್ವಾಮಿ, ಶ್ರೀ ಹೆಚ್.ಕೆ. ಕುಮಾರಸ್ವಾಮಿ ಹಾಗೂ ಇತರರು** – ಕಸ್ತೂರಿ ರಂಗನ್ ವರದಿಯ ಪಾಲನೆಯಿಂದ ಉಂಟಾಗುವ ಸಮಸ್ಯೆಗಳ ಬಗ್ಗೆ ಪಶ್ಚಿಮ ಘಟ್ಟದ ರೈತರು, ಕೃಷಿ ಕಾರ್ಮಿಕರು ಹಾಗೂ ಮೂಲ ನಿವಾಸಿಗಳು ಆತಂಕಗೊಂಡಿರುವ ಬಗ್ಗೆ ಮಾನ್ಯ ಅರಣ್ಯ ಸಚಿವರ ಗಮನ ಸೆಳೆಯುವುದು.

2) **ಶ್ರೀ ಎಸ್. ಕುಮಾರ ಬಂಗಾರಪ್ಪ ಅವರು** – ಸೊರಬ ತಾಲ್ಲೂಕಿನ ಕಚವಿ ಏತ ನೀರಾವರಿ ಯೋಜನೆಯ ಕಳಪೆ ಕಾಮಗಾರಿಯ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

3) **ಶ್ರೀ ಎ.ಎಸ್. ಜಯರಾಮ್ (ಮಸಾಲ ಜಯರಾಮ್) ಅವರು** – ತುರುವೇಕೆರೆ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯಲ್ಲಿ ಬಗರ್ ಹುಕುಂ ಸಮಿತಿಗೆ ಅರ್ಜಿ ಸಲ್ಲಿಸಿರುವ ರೈತರಿಗೆ ಜಮೀನು ಮಂಜೂರು ಮಾಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

4) **ಶ್ರೀ ವೆಂಕಟರಾವ್ ನಾಡಗೌಡ ಅವರು** – ಸಿಂಧನೂರು ನಗರಸಭೆ ವ್ಯಾಪ್ತಿಯ ಶಿವಜ್ಯೋತಿ ನಗರದ ಖಾಸಗಿ ಬಡಾವಣೆಯಲ್ಲಿ ಅನಧಿಕೃತವಾಗಿ ಯು.ಜಿ.ಡಿ ಕಾಮಗಾರಿಯನ್ನು ಕೈಗೊಂಡಿರುವ ಬಗ್ಗೆ ಮಾನ್ಯ ನಗರಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

5) **ಶ್ರೀ ರವೀಂದ್ರ ಶ್ರೀಕಂಠಯ್ಯ ಅವರು** – ಆಶಾ ಕಾರ್ಯಕರ್ತೆಯರಿಗೆ ಸೇವಾ ಭದ್ರತೆ ನೀಡುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

6) **ಶ್ರೀ ಯಶವಂತರಾಯಗೌಡ ವಿಠ್ಠಲಗೌಡ ಪಾಟೀಲ್ ಅವರು** – ವಿಜಯಪುರ ಜಿಲ್ಲೆಯಲ್ಲಿ ಬೆಳೆದಿರುವ ತೋಟಗಾರಿಕಾ ಬೆಳೆಗಳನ್ನು ರಫ್ತು ಮಾಡಲು ಕಾರ್ಗೋ ವಿಮಾನಯಾನ ಆರಂಭಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

7) **ಶ್ರೀ ಎಸ್.ಎ. ರಾಮದಾಸ್ ಅವರು** – ಕರ್ನಾಟಕ ಖಾಸಗಿ ವೈದ್ಯಕೀಯ ಸಂಸ್ಥೆಗಳ ಅಧಿನಿಯಮ ಅನುಷ್ಠಾನದಲ್ಲಿ ಉಂಟಾಗುತ್ತಿರುವ ವಿಳಂಬದ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

8) **ಶ್ರೀ ಎನ್.ಹೆಚ್. ಶಿವಶಂಕರ ರೆಡ್ಡಿ ಅವರು** – ಬಯಲು ಸೀಮೆಯ ಕೆಲವು ಜಿಲ್ಲೆಗಳಲ್ಲಿ ಎತ್ತಿನಹೊಳೆ ಯೋಜನೆಯಡಿ ಕೆರೆಗಳಿಗೆ ನೀರು ತುಂಬಿಸಲು ಜಲಾಶಯ ನಿರ್ಮಾಣ ಮಾಡುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

9) **ಶ್ರೀ ಟಿ.ಡಿ. ರಾಜೇಗೌಡ ಅವರು** – ಶೃಂಗೇರಿ ವಿಧಾನಸಭಾ ಕ್ಷೇತ್ರದ ಗ್ರಾಮೀಣ ರಸ್ತೆ ಅಭಿವೃದ್ಧಿ ಕಾಮಗಾರಿಗಳಿಗೆ ಅನುದಾನವನ್ನು ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್‌ರಾಜ್ ಸಚಿವರ ಗಮನ ಸೆಳೆಯುವುದು.

10) **ಶ್ರೀ ಎಸ್.ಎನ್. ಸುಬ್ಬಾರೆಡ್ಡಿ ಅವರು** – ಬಾಗೇಪಲ್ಲಿ ಪಟ್ಟಣದಲ್ಲಿ ಸರ್ಕಾರಿ ಜಮೀನನ್ನು ಕಬಳಿಕೆ ಮಾಡಿ ನಿರ್ಮಾಣ ಮಾಡಿರುವ ಕಟ್ಟಡಗಳನ್ನು ತೆರವುಗೊಳಿಸುವ ಬಗ್ಗೆ ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರ ಗಮನ ಸೆಳೆಯುವುದು

11) **ಶ್ರೀ ದೇವಾನಂದ್ ಫುಲಸಿಂಗ್ ಚವ್ಹಾಣ್ ಅವರು** –ವಿಜಯಪುರ ಜಿಲ್ಲೆಯಲ್ಲಿ ನಡೆದಿರುವಂಥಹ ಅಪರಾಧ ಪ್ರಕರಣಗಳ ಬಗ್ಗೆ ಮಾನ್ಯ ಗೃಹ ಸಚಿವರ ಗಮನ ಸೆಳೆಯುವುದು.

12) **ಶ್ರೀ ಜಿ. ಕರುಣಾಕರ ರೆಡ್ಡಿ ಅವರು** – ಹರಪನಹಳ್ಳಿಯನ್ನು ಹೊಸದಾಗಿ ಜಿಲ್ಲಾ ಕೇಂದ್ರವನ್ನಾಗಿ ಘೋಷಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಗಳ ಗಮನ ಸೆಳೆಯುವುದು.

13) **ಶ್ರೀ ಜೆ.ಎನ್. ಗಣೇಶ್ ಅವರು** – ಕಂಪ್ಲಿ ವಿಧಾನಸಭಾ ಕ್ಷೇತ್ರವನ್ನು ಬಳ್ಳಾರಿ ಜಿಲ್ಲೆಗೆ ಸೇರಿಸಿರುವುದರಿಂದ ಜನ ಸಾಮಾನ್ಯರು ಎದುರಿಸುತ್ತಿರುವ ಸಮಸ್ಯೆಗಳ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

14) **ಡಾ॥ ಕೆ. ಅನ್ನದಾನಿ ಅವರು** – ಮಂಡ್ಯ ಜಿಲ್ಲೆ ಮಳವಳ್ಳಿ ತಾಲ್ಲೂಕಿನಲ್ಲಿ ಅಪೂರ್ಣಗೊಂಡಿರುವ ಪೂರಿಗಾಲಿ ಸಮಗ್ರ ಹನಿ/ತುಂತುರು ನೀರಾವರಿ ಯೋಜನೆಯ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

15) **ಶ್ರೀ ಹೆಚ್.ಡಿ. ರೇವಣ್ಣ ಅವರು** – ಹೊಳೆನರಸೀಪುರ ನಗರದಲ್ಲಿ ಸರ್ಕಲ್ ಇನ್ಸಪೆಕ್ಟರ್ ಕಛೇರಿ ಹಾಗೂ ಗ್ರಾಮಾಂತರ ಪೊಲೀಸ್ ಠಾಣೆಯ ಕಛೇರಿಗಳ ಕಟ್ಟಡಗಳನ್ನು ನಿರ್ಮಿಸಲು ಅನುದಾನ ನೀಡುವ ಬಗ್ಗೆ ಮಾನ್ಯ ಉಪ ಮುಖ್ಯಮಂತ್ರಿಯವರ (ಲೋಕೋಪಯೋಗಿ)ಗಮನ ಸೆಳೆಯುವುದು.

16) **ಶ್ರೀ ಎ.ಟಿ. ರಾಮಸ್ವಾಮಿ ಅವರು** – ಚೆಸ್ಕಾಂ ವಿಭಾಗದ ರೈತರ ನೀರಾವರಿ ಪಂಪ್ ಸೆಟ್ ಗಳಿಗೆ ವಿದ್ಯುತ್ ಕಲ್ಪಿಸುವ ಕಾಮಗಾರಿಯ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

17) **ಶ್ರೀ ಯು.ಟಿ. ಅಬ್ದುಲ್ ಖಾದರ್ ಅವರು** –ರಾಜ್ಯದಲ್ಲಿ ಕ್ರಿಶ್ಚಿಯನ್ ಅಭಿವೃದ್ಧಿ ನಿಗಮವನ್ನು ಸ್ಥಾಪಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

18) **ಶ್ರೀ ಬಸನಗೌಡ ದದ್ದಲ ಅವರು** – ರಾಯಚೂರು ಗ್ರಾಮೀಣ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯಲ್ಲಿ ನಾರಾಯಣಪುರ ಬಲದಂಡೆ ಕಾಮಗಾರಿಗಾಗಿ ಭೂಮಿ ಕಳೆದುಕೊಂಡ ರೈತರಿಗೆ ಭೂ–ಪರಿಹಾರ ನೀಡುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

19) **ಶ್ರೀ ಎಲ್. ನಾಗೇಂದ್ರ ಅವರು** – ಮೈಸೂರು ನಗರದಲ್ಲಿರುವ ಲ್ಯಾನ್ಸ್‌ಡೌನ್ ಬಿಲ್ಡಿಂಗ್ ಹಾಗೂ ದೇವರಾಜ ಮಾರುಕಟ್ಟೆ ಕಟ್ಟಡಗಳನ್ನು ಅಭಿವೃದ್ಧಿಗೊಳಿಸುವ ಬಗ್ಗೆ ಮಾನ್ಯ ನಗರಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

20) **ಡಾ॥ ಹೆಚ್.ಡಿ. ರಂಗನಾಥ್ ಅವರು** – ಕುಣಿಗಲ್ ತಾಲ್ಲೂಕು ಹೇಮಾವತಿ ನಾಲೆ ನೀರನ್ನು ಸಮರ್ಪಕವಾಗಿ ಹಂಚಿಕೆ ಮಾಡಲು ಲಿಂಕ್ ಕೆನಾಲ್ ನಿರ್ಮಿಸುವ ಯೋಜನೆಯನ್ನು ಅನುಷ್ಠಾನಗೊಳಿಸುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

21) **ಶ್ರೀ ಪ್ರಿಯಾಂಕ ಖರ್ಗೆ ಅವರು** – ಕಲ್ಯಾಣ ಕರ್ನಾಟಕ ವಿಭಾಗಕ್ಕೆ ಕೆ.ಎಸ್.ಐ.ಎಸ್.ಎಫ್. ಬ್ಯಾಟಾಲಿಯನ್ ಸೃಜಿಸುವ ಬಗ್ಗೆ ಮಾನ್ಯ ಗೃಹ ಸಚಿವರ ಗಮನ ಸೆಳೆಯುವುದು.

22) **ಶ್ರೀ ಟಿ. ರಘುಮೂರ್ತಿ ಅವರು** – ಚಳ್ಳಕೆರೆ ನಗರದಲ್ಲಿ ಮೂರನೇ ಹಂತದ ನಗರೋತ್ಥಾನ ಯೋಜನೆಯಡಿ ಬಾಕಿ ಇರುವ ಕಾಮಗಾರಿಗಳು ಸ್ಥಗಿತಗೊಂಡಿರುವ ಬಗ್ಗೆ ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರ ಗಮನ ಸೆಳೆಯುವುದು.

23) **ಶ್ರೀ ಎಸ್.ವಿ. ರಾಮಚಂದ್ರ ಅವರು** – ಜಗಳೂರು ವಿಧಾನಸಭಾ ಕ್ಷೇತ್ರದ ಕುಡಿಯುವ ನೀರಿನ ಯೋಜನೆಗೆ ಅನುದಾನ ಮಂಜೂರು ಮಾಡುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್‌ರಾಜ್ ಸಚಿವರ ಗಮನ ಸೆಳೆಯುವುದು.

24) **ಶ್ರೀ ದುರ್ಯೋಧನ ಐಹೊಳೆ ಮಹಾಲಿಂಗಪ್ಪ ಅವರು** – ರಾಯಭಾಗ ಪಟ್ಟಣ ಪಂಚಾಯಿತಿ ವ್ಯಾಪ್ತಿಯ ಮೀನುಗಾರಿಕೆ ಹಾಗೂ ಸಮಾಜ ಕಲ್ಯಾಣ ಇಲಾಖೆಯ ನಿವೇಶನಗಳನ್ನು ನಕಲಿ ದಾಖಲೆಗಳನ್ನು ಸೃಷ್ಟಿಸಿ ಪಡೆದುಕೊಂಡಿರುವ ಖಾಸಗಿ ವ್ಯಕ್ತಿಗಳಿಂದ ವಶಪಡಿಸಿಕೊಳ್ಳುವ ಬಗ್ಗೆ ಹಾಗೂ ನಕಲಿ ದಾಖಲೆ ಸೃಷ್ಟಿಸಲು ಸಹಕರಿಸಿರುವ ಅಧಿಕಾರಿ/ನೌಕರರುಗಳ ವಿರುದ್ಧ ಶಿಸ್ತು ಕ್ರಮ ಜರುಗಿಸುವ ಬಗ್ಗೆ ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರ ಸಚಿವರ ಗಮನ ಸೆಳೆಯುವುದು.

25) **ಶ್ರೀ ಈ. ತುಕಾರಾಮ್ ಅವರು** – ಸರ್ಕಾರಿ ಜಮೀನನ್ನು ರೈತರಿಗೆ ಹಾಗೂ ಬಡವರಿಗೆ ಹಂಚಲು ಬಗರ್ ಹುಕುಂ ಸಮಿತಿಗೆ ನಿರ್ದೇಶನ ನೀಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

... 7/ ..

26) **ಡಾ॥ ಕೆ. ಶ್ರೀನಿವಾಸ ಮೂರ್ತಿ ಅವರು** – ನೆಲಮಂಗಲ ವಿಧಾನಸಭಾ ಕ್ಷೇತ್ರದ ಮೋಟಗಾನಹಳ್ಳಿ ಗ್ರಾಮದಲ್ಲಿರುವ ಪ್ರಾಥಮಿಕ ಆರೋಗ್ಯ ಕೇಂದ್ರದ ಉದ್ಘಾಟನೆ ಹಾಗೂ ಸಿಬ್ಬಂದಿ ನೇಮಕಾತಿಯ ಬಗ್ಗೆ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

27) **ಶ್ರೀ ತನ್ವೀರ್ ಸೇಠ್ ಅವರು** – ಮೈಸೂರು ನಗರ ಕಲ್ಯಾಣಗಿರಿ ಬಡಾವಣೆಯಲ್ಲಿರುವ ಕೇಂದ್ರ ಸರ್ಕಾರದ ಬೀಡಿ ಕಾರ್ಮಿಕರ ಆಸ್ಪತ್ರೆಯನ್ನು ಆರೋಗ್ಯ ಮತ್ತು ಕುಟುಂಬ ಇಲಾಖೆಗೆ ಹಸ್ತಾಂತರಿಸುವ ಬಗ್ಗೆ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

28) **ಶ್ರೀ ಲಾಲಾಜಿ ಆರ್. ಮೆಂಡನ್ ಅವರು** – ಕಿವುಡ ಮತ್ತು ಮೂಕ ಮಕ್ಕಳ ವಿಶೇಷ ಶಾಲೆಯ ನಿವೃತ್ತ ಶಿಕ್ಷಕರುಗಳಿಗೆ ಪಿಂಚಣಿ ನೀಡುವ ಬಗ್ಗೆ ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಹಾಗೂ ವಿಕಲಚೇತನರ ಮತ್ತು ಹಿರಿಯ ನಾಗರೀಕರ ಸಬಲೀಕರಣ ಸಚಿವರ ಗಮನ ಸೆಳೆಯುವುದು.

29) **ಶ್ರೀ ಸಿ.ಎಂ. ನಿಂಬಣ್ಣವರ್ ಅವರು** – ಕಲಘಟಗಿ ತಾಲ್ಲೂಕಿನಲ್ಲಿ ಆನೆ ಹಾವಳಿಯನ್ನು ತಪ್ಪಿಸಲು ಅರಣ್ಯದಂಚಿನಲ್ಲಿ ಆನೆ ಕ್ಯಾಂಪ್‌ಗಳನ್ನು ನಿರ್ಮಿಸುವ ಬಗ್ಗೆ ಮಾನ್ಯ ಅರಣ್ಯ ಸಚಿವರ ಗಮನ ಸೆಳೆಯುವುದು.

30) **ಶ್ರೀ ಶರತ್ ಕುಮಾರ್ ಬಚ್ಚೇಗೌಡ ಅವರು** –ರಾಜ್ಯದ ದಕ್ಷಿಣ ಒಳನಾಡಿನಲ್ಲಿ ಅಕಾಲಿಕ ಮಳೆ ಮತ್ತು ಸೈಕ್ಲೋನ್‌ನಿಂದಾಗಿ ರಬ್ಬಿ ಬೆಳೆ ನಾಶವಾಗಿ ಸಂಕಷ್ಟಕ್ಕೀಡಾಗಿರುವ ರೈತರಿಗೆ ಪರಿಹಾರ ನೀಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

31) **ಶ್ರೀ ಸಿ.ಎನ್. ಬಾಲಕೃಷ್ಣ ಅವರು** – ನಾಗಮಂಗಲ ಶಾಖಾ ನಾಲೆಯಿಂದ ಚನ್ನರಾಯಪಟ್ಟಣ ತಾಲ್ಲೂಕಿನ ಕೆರೆಗಳಿಗೆ ನೀರು ತುಂಬಿಸುವ ಕಾಮಗಾರಿಯ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

32) **ಶ್ರೀ ಸುರೇಶ್ ಗೌಡ ಅವರು** – ನಾಗಮಂಗಲ ಕ್ಷೇತ್ರ ವ್ಯಾಪ್ತಿಯ ಗ್ರಾಮಗಳಿಗೆ ಕುಡಿಯುವ ನೀರು ಸರಬರಾಜು ಮಾಡಿದವರಿಗೆ ಹಣ ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್‌ರಾಜ್ ಸಚಿವರ ಗಮನ ಸೆಳೆಯುವುದು.

33) **ಶ್ರೀ ಹ್ಯಾರಿಸ್ ಎನ್.ಎ. ಅವರು** – ಬೆಂಗಳೂರು ನಗರ ವ್ಯಾಪ್ತಿಯ ಸಾರ್ವಜನಿಕ ಸ್ಥಳಗಳಲ್ಲಿ ವಾಹನ ನಿಲುಗಡೆಯಿಂದ ಆಗುತ್ತಿರುವ ಸಮಸ್ಯೆಗಳ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

34) **ಶ್ರೀ ಎಲ್.ಎ. ರವಿಸುಬ್ರಮಣ್ಯ ಅವರು** – ಬೆಂಗಳೂರು ನಗರ ವ್ಯಾಪ್ತಿಯ ಹಿರಿಯ ನಾಗರೀಕರ, ವೃದ್ಧಾಪ್ಯ, ಅಂಗವಿಕಲರ, ವಿಧವಾ ಹಾಗೂ ಇತರೆ ಸಾಮಾಜಿಕ ಭದ್ರತೆಗಳ ಪಿಂಚಣಿಗಳ ಬಾಕಿ ಮೊತ್ತವನ್ನು ಪಾವತಿ ಮಾಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

35) **ಶ್ರೀ ಎಸ್.ಆರ್. ಶ್ರೀನಿವಾಸ್ (ವಾಸು) ಅವರು** – ಗುಬ್ಬಿ ವಿಧಾನಸಭಾ ಕ್ಷೇತ್ರದ ವ್ಯಾಪ್ತಿಯಲ್ಲಿನ ವಿವಿಧ ಕೆರೆಗಳಿಗೆ ನೀರು ತುಂಬಿಸುವ ಕಾಮಗಾರಿಯ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

36) **ಶ್ರೀ ಎಂ. ಚಂದ್ರಪ್ಪ ಅವರು** – ಹೊಳಲ್ಕೆರೆ ವಿಧಾನಸಭಾ ಕ್ಷೇತ್ರದಲ್ಲಿ ಗಂಗಾ ಕಲ್ಯಾಣ ಯೋಜನೆಯಡಿ ಕೊರೆದಿರುವ ಕೊಳವೆಬಾವಿಗಳಿಗೆ ಪಂಪ್ ಸೆಟ್ ಅಳವಡಿಸದಿರುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಸಚಿವರ ಗಮನ ಸೆಳೆಯುವುದು.

37) **ಡಾ|| ವೇದವ್ಯಾಸ ಕಾಮತ್ ಅವರು** – ಉಡುಪಿ ಜಿಲ್ಲೆಯಲ್ಲಿ ದೋಣಿ ದುರಂತಕ್ಕೆ ಒಳಗಾಗಿ ಮೃತಪಟ್ಟ ಕುಟುಂಬದವರಿಗೆ ಹೆಚ್ಚಿನ ಪರಿಹಾರ ನೀಡುವ ಬಗ್ಗೆ ಮಾನ್ಯ ಮುಜರಾಯಿ ಹಾಗೂ ಮೀನುಗಾರಿಕೆ, ಬಂದರು ಮತ್ತು ಒಳನಾಡು ಜಲಸಾರಿಗೆ ಸಚಿವರ ಗಮನ ಸೆಳೆಯುವುದು.

38) **ಶ್ರೀಯುತರುಗಳಾದ ಹೆಚ್.ಕೆ. ಕುಮಾರಸ್ವಾಮಿ, ಹೆಚ್.ಡಿ ರೇವಣ್ಣ ಹಾಗೂ ಇತರರು** – ಹೇಮಾವತಿ ಜಲಾಶಯ ನಿರ್ಮಾಣಕ್ಕಾಗಿ ಹಾಸನ ಜಿಲ್ಲೆ ಹಳ್ಳಿ ಮೈಸೂರು ಹೋಬಳಿಯ ನಿಡುವಣಿ ಗ್ರಾಮದಲ್ಲಿ ವಶಪಡಿಸಿಕೊಂಡಿರುವ ಭೂಮಿಗೆ ಹೆಚ್ಚಿನ ಪರಿಹಾರವನ್ನು ನೀಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

39) **ಶ್ರೀ ಕೆ.ಎಸ್. ಲಿಂಗೇಶ್ ಅವರು** – ಹೇಮಾವತಿ/ಯಗಚಿ/ವಾಟೆಹೊಳೆ ಜಲಾಶಯ ನಿರ್ಮಾಣಕ್ಕಾಗಿ ಜಮೀನು ಕಳೆದುಕೊಂಡ ಸಂತ್ರಸ್ತರಿಗೆ ಮೀಸಲಿರಿಸಿದ ಜಮೀನನ್ನು ನಕಲಿ ದಾಖಲೆ ಸೃಷ್ಟಿಸಿ, ಸಂತ್ರಸ್ತರಲ್ಲದವರಿಗೆ ಮಂಜೂರು ಮಾಡಿರುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

40) **ಶ್ರೀ ಅಮೃತ್ ಅಯ್ಯಪ್ಪ ದೇಸಾಯಿ ಅವರು** – ಧಾರವಾಡ ತಾಲ್ಲೂಕು ಸೈದಾಪುರ ಗ್ರಾಮದಲ್ಲಿ ನಿರ್ಮಾಣ ಹಂತದ ಕಟ್ಟಡ ಕುಸಿತದಿಂದ ಮೃತಪಟ್ಟವರಿಗೆ ಪರಿಹಾರ ನೀಡುವ ಬಗ್ಗೆ ಹಾಗೂ ಈ ಪ್ರಕರಣದ ತನಿಖಾ ವರದಿಯ ಕಡತವನ್ನು ಸಂರಕ್ಷಿಸುವಲ್ಲಿ ವಿಫಲರಾದ ಅಧಿಕಾರಿಗಳ ವಿರುದ್ಧ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ನಗರಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

41) **ಶ್ರೀ ಹೆಚ್.ಕೆ. ಕುಮಾರಸ್ವಾಮಿ ಅವರು** – ಮಲೆನಾಡು ಪ್ರದೇಶದಲ್ಲಿ ಆನೆ ಹಾವಳಿಯಿಂದ ಉಂಟಾಗಿರುವ ಬೆಳೆ ಹಾನಿಗೆ ಪರಿಹಾರ ನೀಡುವ ಬಗ್ಗೆ ಮಾನ್ಯ ಅರಣ್ಯ ಸಚಿವರ ಗಮನ ಸೆಳೆಯುವುದು.

## 7. ಖಾಸಗಿ ಸದಸ್ಯರ ಕಾರ್ಯಕಲಾಪಗಳು

### ನಿರ್ಣಯಗಳು

**ಶ್ರೀ ಅಭಯ ಪಾಟೀಲ ಅವರು ದಿನಾಂಕ: 19.03.2020 ರಂದು ಮಂಡಿಸಿರುವ ಈ ಕೆಳಕಂಡ ನಿರ್ಣಯಗಳ ಬಗ್ಗೆ ಚರ್ಚೆ:**

1) "ಬೆಳಗಾವಿ ಹಾಗೂ ಉತ್ತರ ಕರ್ನಾಟಕದ ಪರಿಸರದಲ್ಲಿ ಹಲವಾರು ಶೈಕ್ಷಣಿಕ ವಿದ್ಯಾಸಂಸ್ಥೆಗಳಿದ್ದು, ಇಲ್ಲಿ ಹೆಚ್ಚಿನ ಸಂಖ್ಯೆಯಲ್ಲಿ ವಿದ್ಯಾವಂತ ಯುವಕರು ನಿರುದ್ಯೋಗಿಗಳಾಗಿದ್ದು, ಉದ್ಯೋಗವನ್ನು ಅರಸಿ ಬೇರೆ, ಬೇರೆ ದೇಶಕ್ಕೆ ಹಾಗೂ ದೇಶದ ವಿವಿಧ ರಾಜ್ಯಗಳಿಗೆ ವಲಸೆ ಹೋಗುತ್ತಿದ್ದಾರೆ. ಇದನ್ನು ತಪ್ಪಿಸಲು ಹಾಗೂ ಉತ್ತರ ಕರ್ನಾಟಕ ಸಮಗ್ರ ಅಭಿವೃದ್ಧಿಗಾಗಿ ವಿವಿಧ ತಾಂತ್ರಿಕ ಹಾಗೂ ಎಲೆಕ್ಟ್ರಿಕಲ್ & ಎಲೆಕ್ಟ್ರಾನಿಕ್ಸ್, ಜವಳಿ & ಕೈಗಾರಿಕಾ ಕ್ಷೇತ್ರಗಳನ್ನು ಅಭಿವೃದ್ಧಿ ಪಡಿಸಲು ವಿವಿಧ ಬಗೆಯ ವೈಜ್ಞಾನಿಕ ಹಾಗೂ ಆಧುನಿಕ ತಾಂತ್ರಿಕತೆಯನ್ನು ಹೊಂದಿರುವ ದೇಶದಲ್ಲಿಯೇ ಮಾದರಿಯಾಗುವ ರೀತಿಯಲ್ಲಿ ಐ.ಟಿ. ಪಾರ್ಕ್ ಸ್ಥಾಪಿಸುವುದು ಅವಶ್ಯಕವಾಗಿದೆ. ಕಾರಣ ಬೆಂಗಳೂರು–ಪುಣೆ ರಾಷ್ಟ್ರೀಯ ಹೆದ್ದಾರಿ ಸಂಖ್ಯೆ:4ಕ್ಕೆ ಹೊಂದಿಕೊಂಡಿರುವ ಬೆಳಗಾವಿ ಗ್ರಾಮದ ಸರ್ವೆ ನಂ.1304 ರಿಂದ 1349 ರಲ್ಲಿರುವ ಒಟ್ಟು 745 ಎಕರೆಯಷ್ಟು ರಾಜ್ಯ ಸರ್ಕಾರಕ್ಕೆ ಸೇರಿರುವ, ಈ ಜಮೀನಿನಲ್ಲಿ ಮಾದರಿ ಬಹು ತಾಂತ್ರಿಕ ಐ.ಟಿ. ಪಾರ್ಕ್‌ನ್ನು ಸ್ಥಾಪಿಸಲು ರಾಜ್ಯ ಸರ್ಕಾರವು ಕೂಡಲೇ ಕ್ರಮ ಕೈಗೊಳ್ಳಬೇಕೆಂದು ಈ ಸದನವು ಒತ್ತಾಯಿಸುತ್ತದೆ."

2) "ಭಾರತ ದೇಶದ ಸ್ವಾತಂತ್ರ್ಯ ಸಂಗ್ರಾಮದಲ್ಲಿ ಹೋರಾಡಿದ ಗಣ್ಯ ವ್ಯಕ್ತಿಗಳ ಹಾಗೂ ಅವರ ಐತಿಹಾಸಿಕ ಸ್ಮಾರಕಗಳನ್ನು ನಿರ್ಮಿಸುವ ಮುಖಾಂತರ ಇಂದಿನ ಯುವ ಪೀಳಿಗೆಗೆ ಅದನ್ನು ಪರಿಚಯಿಸುವುದು ಹಾಗೂ ಸ್ವಾತಂತ್ರ್ಯ ಹೋರಾಟಗಾರರನ್ನು ಸ್ಮರಿಸಿಕೊಳ್ಳುವುದು ಅತ್ಯಂತ ಅವಶ್ಯಕವಾಗಿದ್ದು, ಇದರಿಂದ ಮುಂಬರುವ ಹಾಗೂ ಇತ್ತೀಚಿನ ಪೀಳಿಗೆಗೆ ದೇಶಾಭಿಮಾನ ಹಾಗೂ ದೇಶದ ಸಂಸ್ಕೃತಿ, ಸಂಸ್ಕಾರ, ಗೌರವ ಹೆಚ್ಚಿಸಬಹುದಾಗಿದೆ. ಆದ್ದರಿಂದ ವೀರ ಯೋಧರುಗಳು, ಸಾಹಿತಿಗಳು, ವಿಜ್ಞಾನಿಗಳು, ಕವಿಗಳು, ಸ್ವತಂತ್ರ ಭಾರತಕ್ಕೆ ಹೋರಾಟ ಮಾಡಿರುವ ಕರ್ಮಭೂಮಿ, ಜೀವನ ಶೈಲಿ, ಶೈಕ್ಷಣಿಕ ಕ್ಷಣಗಳು, ದೇಶಕ್ಕಾಗಿ ಹೋರಾಟ ಮಾಡಿ ಪ್ರಾಣ ತೆತ್ತಿರುವ ಅವಿಸ್ಮರಣೀಯ ಕ್ಷಣಗಳು ಮುಂತಾದ ವಿವಿಧ ಬಗೆಯ ಸ್ಮಾರಕಗಳ ಪ್ರತಿರೂಪಗಳ ಪಳುವಳಿಕೆಗಳನ್ನು ಒಂದೇ ಪರಿಸರದಲ್ಲಿ ಸ್ಥಾಪಿಸುವುದರಿಂದ ಇಂದಿನ ಯುವಕರಲ್ಲಿ ದೇಶಾಭಿಮಾನವನ್ನು ಹೆಚ್ಚಿಸುವುದರ ಜೊತೆಗೆ ರಾಜ್ಯದ ಗಡಿ ಭಾಗ ಹಾಗೂ ಉತ್ತರ ಕರ್ನಾಟಕದ ಕೇಂದ್ರ ಬಿಂದುವಾಗಿರುವ ಬೆಳಗಾವಿಯನ್ನು ಮಾದರಿ ಪ್ರವಾಸೋದ್ಯಮ ಕೇಂದ್ರವನ್ನಾಗಿ ಅಭಿವೃದ್ಧಿಪಡಿಸಬಹುದಾಗಿದೆ. ಕಾರಣ ಬೆಳಗಾವಿ ತಾಲ್ಲೂಕಿನ ಮಚ್ಚೆ ಗ್ರಾಮದ ಸರ್ವೆ ನಂ.559, 560, 561, ಹಾಗೂ 593 ರಲ್ಲಿರುವ ಸುಮಾರು 317 ಎಕರೆಯಷ್ಟು ಸರ್ಕಾರಿ ಜಮೀನಿನಲ್ಲಿ ರಾಜ್ಯ ಮತ್ತು ಕೇಂದ್ರ ಸರ್ಕಾರದ ಸಂಯುಕ್ತ ಅನುದಾನದಲ್ಲಿ ಐತಿಹಾಸಿಕ ಸ್ಮಾರಕಗಳ ಮಾದರಿಗಳನ್ನು (ರಿಪ್ಲಿಕಾಗಳನ್ನು) ನಿರ್ಮಿಸಬೇಕೆಂದು ಈ ಸದನವು ಒತ್ತಾಯಿಸುತ್ತದೆ."

ಎಂ.ಕೆ. ವಿಶಾಲಾಕ್ಷಿ
ಕಾರ್ಯದರ್ಶಿ(ಪ್ರ)

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm